ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ಸೋಮವಾರ, ದಿನಾಂಕ: 23ನೇ ಮಾರ್ಚ್, 2020

ಆನೆಗಳ ಹಾವಳಿಯಿಂದ ಉಂಟಾಗುತ್ತಿರುವ ನಷ್ಟದ ಕುರಿತು

ಶ್ರೀ ಎಂ.ಎ. ಗೋಪಾಲಸ್ವಾಮಿ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) :-

1440 (1704) ಮಾನ್ಯ ಅರಣ್ಯ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಹಾಸನ ಜಿಲ್ಲೆಯಲ್ಲಿ ಆನೆಗಳ ಹಾವಳಿ ಹೆಚ್ಚಾಗಿರುವ ವಿಚಾರ ಸರ್ಕಾರದ ಗಮನಕ್ಕೆ ಬಂದಿದೆಯೇ ; ಬಂದಿದ್ದಲ್ಲಿ, ಈ ಕುರಿತು ಸರ್ಕಾರ ಕೈಗೊಂಡ ಕ್ರಮಗಳೇನು ; (ಸಂಪೂರ್ಣ ವಿವರ ನೀಡುವುದು)

(ಆ) ಕಳೆದ 3 ವರ್ಷಗಳಲ್ಲಿ ಹಾಸನ ಜಿಲ್ಲೆಯಲ್ಲಿ ಆನೆ ದಾಳಿಗೊಳಗಾದ ಕುಟುಂಬಗಳಿಗೆ ಸರ್ಕಾರ ನೀಡಿರುವ ಪರಿಹಾರವೆಷ್ಟು ; ಈವರೆಗೂ ಎಷ್ಟು ಕುಟುಂಬಗಳಿಗೆ ಪರಿಹಾರ ನೀಡಲಾಗಿದೆ ; (ಫಲಾನುಭವಿಯ ಹೆಸರು ಮತ್ತು ಗ್ರಾಮದ ವಿವರ ನೀಡುವುದು)

(ಇ) ಪರಿಹಾರ ನೀಡದೇ ಬಾಕಿ ಉಳಿದಿರುವ ಕುಟುಂಬಗಳೆಷ್ಟು ; ಪರಿಹಾರ ನೀಡುವಲ್ಲಿ ವಿಳಂಬವಾಗುತ್ತಿರಲು ಕಾರಣಗಳೇನು ; ಯಾವ ಕಾಲಮಿತಿಯಲ್ಲಿ ಉಳಿದ ಕುಟುಂಬಗಳಿಗೆ ಪರಿಹಾರ ನೀಡಲಾಗುವುದು? (ಸಂಪೂರ್ಣ ಮಾಹಿತಿ ನೀಡುವುದು)